# ಕರ್ನಾಟಕ ವಿಧಾನ ಪರಿಷತ್ತು

| | |
|---|---|
| ಚುಕ್ಕೆ ಗುರುತಿಲ್ಲದ ಪ್ರಶ್ನೆ ಸಂಖ್ಯೆ | 127 ( 132) |
| ಸದಸ್ಯರ ಹೆಸರು | ಶ್ರೀ ಕೆ.ಟಿ. ಶ್ರೀಕಂಠೇಗೌಡ (ಪದವೀಧರರ ಕ್ಷೇತ್ರ) |
| ಉತ್ತರಿಸಬೇಕಾದ ದಿನಾಂಕ | 01.02.2021 |
| ಉತ್ತರಿಸಬೇಕಾದ ಸಚಿವರು | ಉಪ ಮುಖ್ಯಮಂತ್ರಿಗಳು (ಉನ್ನತ ಶಿಕ್ಷಣ) |

| | ಪ್ರಶ್ನೆ | ಉತ್ತರ |
|---|---|---|
| (ಅ) | ರಾಜ್ಯದಲ್ಲಿ ಕೋವಿಡ್ ಕಾರಣದಿಂದ ಸ್ಥಗಿತವಾಗಿದ್ದ ಪ್ರಥಮ ದರ್ಜೆ ಕಾಲೇಜುಗಳು ಯಾವಾಗ ಆರಂಭಗೊಳ್ಳುತ್ತವೆ; | ಸರ್ಕಾರದ ಆದೇಶ ಸಂಖ್ಯೆ: ಇಡಿ 334 ಯುಎನ್ಇ/2020, ದಿನಾಂಕ: 09.11.2020 ರನ್ವಯ ಸ್ನಾತಕೋತ್ತರ ಮತ್ತು ಅಂತಿಮ ವರ್ಷದ ವಿದ್ಯಾರ್ಥಿಗಳಿಗೆ ಆಯ್ಕೆಯ ಮೇರೆಗೆ ಭೌತಿಕ ಅಥವಾ ಆನ್‌ಲೈನ್ ತರಗತಿಗಳನ್ನು ದಿನಾಂಕ: 17.11.2020 ರಿಂದ ಪ್ರಾರಂಭಿಸಲಾಗಿದೆ. ಸರ್ಕಾರದ ಆದೇಶ ಸಂಖ್ಯೆ: ಇಡಿ 334 ಯುಎನ್ಇ 2020, ದಿನಾಂಕ: 13.01.2021 ರನ್ವಯ ದಿನಾಂಕ: 15.01.2021 ರಿಂದ ರಾಜ್ಯದ ಎಲ್ಲಾ ಸರ್ಕಾರಿ ಹಾಗೂ ಖಾಸಗಿ ಅನುದಾನಿತ ಕಾಲೇಜುಗಳಲ್ಲಿ ಪದವಿ ಮತ್ತು ಸ್ನಾತಕೋತ್ತರ ಪದವಿ ತರಗತಿಗಳನ್ನು ಪೂರ್ಣ ಪ್ರಮಾಣದಲ್ಲಿ ಪ್ರಾರಂಭಿಸಲಾಗಿದೆ. |
| (ಆ) | ಪ್ರಸಕ್ತ ಶೈಕ್ಷಣಿಕ ಸಾಲಿನಲ್ಲಿ ಅತಿಥಿ ಉಪನ್ಯಾಸಕರುಗಳನ್ನು ನೇಮಕಾತಿ ಮಾಡಲಾಗಿದೆಯೇ; | 2020-21ನೇ ಶೈಕ್ಷಣಿಕ ಸಾಲಿನಲ್ಲಿ ಕಾಲೇಜು ಶಿಕ್ಷಣ ಇಲಾಖೆಯ ಸರ್ಕಾರಿ ಪ್ರಥಮ ದರ್ಜೆ ಕಾಲೇಜುಗಳಲ್ಲಿ ಹೆಚ್ಚುವರಿ ಬೋಧನಾ ಕಾರ್ಯಭಾರಕ್ಕನುಗುಣವಾಗಿ ಒಟ್ಟು 14183 ಅತಿಥಿ ಉಪನ್ಯಾಸಕರನ್ನು ಆಯ್ಕೆ ಮಾಡಿಕೊಳ್ಳಲು ಸರ್ಕಾರಕ್ಕೆ ಪ್ರಸ್ತಾವನೆಯನ್ನು ಸಲ್ಲಿಸಿದ್ದು, ಈ ಪೈಕಿ ಶೇಕಡ 50 ರಷ್ಟು (7091) ಅತಿಥಿ ಉಪನ್ಯಾಸಕರನ್ನು ಮಾತ್ರ ಆಯ್ಕೆ ಮಾಡಿಕೊಳ್ಳಲು ಅನುಮತಿ ನೀಡಿದೆ.<br><br>ಅದರಂತೆ, ಕಾಲೇಜುಗಳಲ್ಲಿ ಹೆಚ್ಚುವರಿ ಕಾರ್ಯಭಾರಕ್ಕನುಗುಣವಾಗಿ 7091 ಅತಿಥಿ ಉಪನ್ಯಾಸಕರುಗಳನ್ನು ಆಯ್ಕೆ ಮಾಡಿಕೊಳ್ಳಲು ಆಯುಕ್ತರು, ಕಾಲೇಜು ಶಿಕ್ಷಣ ಇಲಾಖೆ ಇವರ ಸುತ್ತೋಲೆ ಸಂಖ್ಯೆ: ಕಾಶಿಇ/ನೇವಿ-1/ಅಉಆ/19/2019-20, ದಿನಾಂಕ: 19.01.2021 ಮತ್ತು ದಿನಾಂಕ: 21.01.2021 ರಲ್ಲಿ ಎಲ್ಲಾ ಸರ್ಕಾರಿ ಪ್ರಥಮ ದರ್ಜೆ ಕಾಲೇಜುಗಳ ಪ್ರಾಂಶುಪಾಲರುಗಳಿಗೆ ನಿರ್ದೇಶನ ನೀಡಲಾಗಿರುತ್ತದೆ.<br><br>ಮುಂದುವರೆದು, ವಿದ್ಯಾರ್ಥಿಗಳ ಶೈಕ್ಷಣಿಕ ಹಿತದೃಷ್ಟಿಯಿಂದ ಬಾಕಿ ಉಳಿದ ಶೇಕಡ 50 ರಷ್ಟು 7092 ಅತಿಥಿ ಉಪನ್ಯಾಸಕರುಗಳನ್ನು ಆಯ್ಕೆ ಮಾಡಿಕೊಳ್ಳಲು ಆಯುಕ್ತಾಲಯದ ಏಕ ಕಡತದಲ್ಲಿ ಆರ್ಥಿಕ ಇಲಾಖೆಯ ಸಹಮತಿಯನ್ನು ಕೋರಲಾಗಿದೆ. |
| (ಇ) | ಇಲ್ಲವಾದಲ್ಲಿ, ಇವರಿಗೆ ಯಾವಾಗ ನೇಮಕಾತಿ ಮಾಡಲಾಗುವುದು? | |

**ಇಡಿ 29 ಡಿಸಿಇ 2021**

(ಡಾ. ಅಶ್ವಥ್ ನಾರಾಯಣ ಸಿ.ಎನ್.)
ಉಪ ಮುಖ್ಯಮಂತ್ರಿಗಳು (ಉನ್ನತ ಶಿಕ್ಷಣ)